# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 808
ಸದಸ್ಯರ ಹೆಸರು : ಶ್ರೀ ಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ)
ಉತ್ತರಿಸುವ ದಿನಾಂಕ : 20-09-2021
ಉತ್ತರಿಸುವ ಸಚಿವರು : ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು

| ಕ್ರಮ ಸಂಖ್ಯೆ | ಪ್ರಶ್ನೆ | ಉತ್ತರ |
|---|---|---|
| ಅ) | 2020-21ನೇ ಸಾಲಿನಲ್ಲಿ ರಾಜ್ಯ ಸರ್ಕಾರಿ ಪದವಿ ಪೂರ್ವ ಕಾಲೇಜುಗಳ ಉಪನ್ಯಾಸಕರ ವರ್ಗಾವಣೆ ನಡೆಸಲಾಗಿದೆಯೇ; | ಇಲ್ಲ. |
| ಆ) | ಇಲ್ಲವಾದಲ್ಲಿ, ನಡೆಸದೆ ಇರಲು ಕಾರಣ ಏನು; ವಿಳಂಬಕ್ಕೆ ಕಾರಣವೇನು | ಸರ್ಕಾರಿ ಪದವಿ ಪೂರ್ವ ಕಾಲೇಜು ಉಪನ್ಯಾಸಕರ ಹಾಗೂ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಶಿಕ್ಷಕರ ವರ್ಗಾವಣೆ ನಿಯಂತ್ರಣ ಅಧಿನಿಯಮವನ್ನು "ಶಿಕ್ಷಕ ಸ್ನೇಹಿ" ವರ್ಗಾವಣೆಗಳನ್ನೊಳಗೊಂಡ ನೂತನ ಕಾಯ್ದೆಯನ್ನು ರಚಿಸಲು ತೀರ್ಮಾನಿಸಿ, ಅದರಂತೆ, ಕರ್ನಾಟಕ ರಾಜ್ಯ ಸಿವಿಲ್ ಸೇವೆ(ಶಿಕ್ಷಕರ ವರ್ಗಾವಣೆ ನಿಯಂತ್ರಣ) ವಿಧೇಯಕ 2020ನ್ನು ದಿನಾಂಕ:10-03-2020ರಂದು ಕರ್ನಾಟಕ ರಾಜ್ಯ ಪತ್ರದಲ್ಲಿ ಪ್ರಕಟಿಸಿರುತ್ತಾರೆ. ಸದರಿ ಅಧಿನಿಯಮದಲ್ಲಿ ಸರ್ಕಾರಿ ಪದವಿ ಪೂರ್ವ ಕಾಲೇಜಿನ ಉಪನ್ಯಾಸಕರು ಹಾಗೂ ಪ್ರಾಂಶುಪಾಲರಿಗೆ ಸಂಬಂಧಿಸಿದ ಉಪಬಂಧಗಳನ್ನು ಹೊರತುಪಡಿಸಿ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳು(ಶಿಕ್ಷಕರ ವರ್ಗಾವಣೆ ನಿಯಂತ್ರಣ) ಕಾಯ್ದೆ, 2007 ನಿರಸನಗೊಳಿಸಿ ಆದೇಶಿಸಿದೆ. ಇದರನ್ವಯ ಸರ್ಕಾರಿ ಪದವಿ ಪೂರ್ವ ಕಾಲೇಜು ಉಪನ್ಯಾಸಕರ ವರ್ಗಾವಣೆಯನ್ನು ನಡೆಸಿದ್ದಲ್ಲಿ, ಮತ್ತೊಮ್ಮೆ ಕಡ್ಡಾಯ ವರ್ಗಾವಣೆಯನ್ನು ಕೈಗೊಳ್ಳಬೇಕಾಗಿರುತ್ತಿತ್ತು.<br><br>ಮುಂದುವರೆದು, ಕೋವಿಡ್ 19 ಸಾಂಕ್ರಾಮಿಕ ರೋಗದ ಹಿನ್ನೆಲೆಯಲ್ಲಿ, 2020-21ನೇ ಸಾಲಿನಲ್ಲಿ ಭೌತಿಕ ತರಗತಿಗಳನ್ನು ಡಿಸೆಂಬರ್ 2020ರ ವರೆಗೆ ವಿದ್ಯಾರ್ಥಿಗಳ ಹಾಗೂ ಉಪನ್ಯಾಸಕರ ಆರೋಗ್ಯದ ಹಿತದೃಷ್ಟಿಯಿಂದ ನಡೆಸಲು ಸಾಧ್ಯವಾಗಿರುವುದಿಲ್ಲ. ಈ ಕಾರಣಗಳಿಂದ 2020-21ನೇ ಸಾಲಿನ ವರ್ಗಾವಣೆ ಪ್ರಕ್ರಿಯೆಗೆ ಚಾಲನೆ ನೀಡಲು ಸಾಧ್ಯವಾಗಿರುವುದಿಲ್ಲ. |

| | | |
|---|---|---|
| ಇ) | 2020–21ನೇ ಸಾಲಿನ ಪದವಿ ಪೂರ್ವ ಉಪನ್ಯಾಸಕರ ವರ್ಗಾವಣೆಯನ್ನು ಯಾವಾಗ ನಡೆಸಲಾಗುವುದು; (ಮಾಹಿತಿ ನೀಡುವುದು) | ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳು (ಶಿಕ್ಷಕರ ವರ್ಗಾವಣೆ ನಿಯಂತ್ರಣ) ವಿಧೇಯಕ 2020ರಲ್ಲಿ ಕೆಲವೊಂದು ಕಲಂಗಳನ್ನು ತಿದ್ದುಪಡಿಗೊಳಿಸುವ ಮೂಲಕ ಸರ್ಕಾರಿ ಪದವಿ ಪೂರ್ವ ಕಾಲೇಜುಗಳಲ್ಲಿ ಕಾರ್ಯ ನಿರ್ವಹಿಸುತ್ತಿರುವ ಉಪನ್ಯಾಸಕರಿಗೆ ಶಿಕ್ಷಕ ಸ್ನೇಹಿ ವರ್ಗಾವಣೆ ಅವಕಾಶ ಕಲ್ಪಿಸಲು ದಿನಾಂಕ:08-04-2021ರಂದು ರಾಜ್ಯದ 11 ವಿಧಾನ ಪರಿಷತ್ ಸದಸ್ಯರ ಸಮ್ಮುಖದಲ್ಲಿ ನಡೆದ ಆನಲೈನ್ ವಿಡಿಯೋ ಸಭೆಯಲ್ಲಿ ಚರ್ಚಿಸಿ ತೀರ್ಮಾನಿಸಲಾಗಿರುತ್ತದೆ. ಅದರಂತೆ, ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳು (ಶಿಕ್ಷಕರ ವರ್ಗಾವಣೆ ನಿಯಂತ್ರಣ) ವಿಧೇಯಕ 2020ಕ್ಕೆ ತಿದ್ದುಪಡಿ /ಸೇರ್ಪಡೆಗೊಳಿಸುವ ಕುರಿತ ಪ್ರಸ್ತಾವನೆಯು ಪರಿಶೀಲನೆಯಲ್ಲಿದೆ. |

**ಸಂಖ್ಯೆ: ಇಡಿ 142 ಡಿಜಿಡಬ್ಲ್ಯೂ 2021**

(ಬಿ.ಸಿ. ನಾಗೇಶ್)

ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು ಹಾಗೂ ಸಕಾಲ ಸಚಿವರು